ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಬಿ.ಬಿ.ಎಂ.ಪಿ ವ್ಯಾಪ್ತಿಗೆ ಒಳಪಡುವ ಜಮೀನನ್ನು ಅನಧಿಕೃತವಾಗಿ ನೋಂದಣಿ ಮಾಡುತ್ತಿರುವ ಬಗ್ಗೆ

ಶ್ರೀ ಎಂ.ನಾರಾಯಣಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

201 (277) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯ ಬೆಂಗಳೂರು ಪೂರ್ವ ತಾಲ್ಲೂಕು, ಬಸವನಪುರ ಗ್ರಾಮದ ಸರ್ವೆ ನಂ.26/1 ರಲ್ಲಿರುವ 4 ಎಕರೆ 18 ಗುಂಟೆ ಸರ್ಕಾರದ ಗೋಮಾಳದ ಜಮೀನನ್ನು ಅನಧಿಕೃತವಾಗಿ ನೋಂದಣಿ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ರೀತಿ ಅನಧಿಕೃತ ನೋಂದಣಿಯನ್ನು ರದ್ದುಪಡಿಸಲು ಸ್ಥಳೀಯ ಗ್ರಾಮಸ್ಥರು ಜಿಲ್ಲಾಧಿಕಾರಿಗಳಿಗೆ ಮತ್ತು ಆಯುಕ್ತರು, ಬಿ.ಬಿ.ಎಂ.ಪಿ ಇವರುಗಳಿಗೆ ಅರ್ಜಿ ಸಲ್ಲಿಸಿದ್ದರೂ ಯಾವುದೇ ಕ್ರಮ ಕೈಗೊಳ್ಳದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಅಕ್ರಮ ನೋಂದಣಿಗಳನ್ನು ರದ್ದುಪಡಿಸಲು ಸರ್ಕಾರದ ಮಾನದಂಡಗಳೇನು? (ವಿವರ ಒದಗಿಸುವುದು)